


# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 26-03-2021 ಪ್ರಶ್ನೆ ಸಂಖ್ಯೆ : 1933(2215)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕೆ. ಪ್ರತಾಪಚಂದ್ರ ಶೆಟ್ಟಿ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 26-03-2021

ಉತ್ತರಿಸುವ ಸಚಿವರು: ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು

ವಿಷಯ : ರಾಜ್ಯದ ಕೆ.ಎಸ್.ಆರ್.ಟಿ.ಸಿ., ಬಸ್ ನಿಲ್ದಾಣಗಳ ನಿರ್ಮಾಣ ಕುರಿತು

(ಅ) ರಾಜ್ಯದ ಯಾವ ಯಾವ ಜಿಲ್ಲಾ ಹಾಗೂ ತಾಲ್ಲೂಕು ಕೇಂದ್ರಗಳಲ್ಲಿ ಕೆ.ಎಸ್.ಆರ್.ಟಿ.ಸಿ., ಬಸ್ ನಿಲ್ದಾಣಗಳನ್ನು ನಿರ್ಮಿಸಲಾಗಿದೆ; ಯಾವ ಜಿಲ್ಲೆಯಲ್ಲಿ ನಿರ್ಮಿಸಲು ಬಾಕಿ ಇದೆ; (ಜಿಲ್ಲಾವಾರು, ತಾಲ್ಲೂಕುವಾರು ಮಾಹಿತಿ ನೀಡುವುದು)

(ಆ) ಕೆ.ಎಸ್.ಆರ್.ಟಿ.ಸಿ., ಬಸ್ ನಿಲ್ದಾಣಗಳನ್ನು ನಿರ್ಮಿಸಲು ಬಾಕಿಯಿರುವ ಜಿಲ್ಲೆ ಮತ್ತು ತಾಲ್ಲೂಕು ಕೇಂದ್ರಗಳಲ್ಲಿ ಸ್ಥಳವನ್ನು ಕಾಯ್ದಿರಿಸಲಾಗಿದೆಯೇ; ಕಾಯ್ದಿರಿಸದೇ ಇದ್ದಲ್ಲಿ ಯಾವಾಗ ಕಾಯ್ದಿರಿಸಲಾಗುವುದು; ಬಸ್ ನಿಲ್ದಾಣ ನಿರ್ಮಾಣದ ಸಂಪೂರ್ಣ ಪ್ರಕ್ರಿಯೆಯನ್ನು ಯಾವ ಕಾಲಮಿತಿಯಲ್ಲಿ ಮುಗಿಸಲಾಗುವುದು;

(ಇ) ರಾಜ್ಯದಲ್ಲಿ ಬೆಂಗಳೂರನ್ನು ಹೊರತುಪಡಿಸಿ ಅತೀ ಹೆಚ್ಚು ಬಸ್ಸು ಹಾದುಹೋಗುವ ಕೆ.ಎಸ್.ಆರ್.ಟಿ.ಸಿ., ಬಸ್ ನಿಲ್ದಾಣಗಳಾವುವು; (1 ರಿಂದ 10 ಕ್ರಮಾಂಕದಲ್ಲಿ ಹೆಸರಿಸುವುದು) ಅವುಗಳಲ್ಲಿ ಮೂಲ ಸೌಕರ್ಯಗಳನ್ನು ಅಭಿವೃದ್ಧಿಪಡಿಸಲಾಗಿದೆಯೇ?